ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಪ್ರವಾಸೋದ್ಯಮ ಇಲಾಖೆಯಿಂದ ಮಂಜೂರಾದ ಕಾಮಗಾರಿಗಳ ಕುರಿತು

ಶ್ರೀ ಐವನ್ ಡಿ'ಸೋಜಾ (ನಾಮನಿರ್ದೇಶನ ಹೊಂದಿದವರು):-

296 (320) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) 2018-19 ಮತ್ತು 2019-20ನೇ ಸಾಲಿನಲ್ಲಿ ಪ್ರವಾಸೋದ್ಯಮ ಇಲಾಖೆಯಿಂದ ಮಂಜೂರಾದ ಕಾಮಗಾರಿಗಳೆಷ್ಟು; ಅನುಷ್ಠಾನಗೊಂಡ ಕಾಮಗಾರಿಗಳೆಷ್ಟು; ಪ್ರಗತಿಯಲ್ಲಿರುವ ಕಾಮಗಾರಿಗಳೆಷ್ಟು;

(ಆ) ಪ್ರವಾಸೋದ್ಯಮ ಇಲಾಖೆಯಿಂದ ರಾಜ್ಯದಲ್ಲಿ ಕಾರ್ಯನಿರ್ವಹಿಸುತ್ತಿರುವ `ಯಾತ್ರಿ' ಭವನಗಳ ನಿರ್ವಹಣೆಗಳು ಇಲಾಖೆಯಿಂದ ಮಾಡಲಾಗಿದೆಯೇ; ಇದರಿಂದ ಬರುವ ಆದಾಯ ಎಷ್ಟು; (ವಿವರ ನೀಡುವುದು)

(ಇ) ಪ್ರವಾಸೋದ್ಯಮ ಇಲಾಖೆಯಿಂದ ರಾಜ್ಯದಲ್ಲಿ ಕಾರ್ಯನಿರ್ವಹಿಸುತ್ತಿರುವ ವಿವಿಧ ನಿಗಮ ಮಂಡಳಿಗಳು ಲಾಭದಲ್ಲಿ ಇದೆಯೇ; ಇಲ್ಲದ್ದಿದಲ್ಲಿ, ಇದರ ಪುನಃಶ್ಚೇತನಕ್ಕೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಈ) ಪ್ರವಾಸೋದ್ಯಮ ಇಲಾಖೆಯ ಕಾಮಗಾರಿಗಳು ಕಳಪೆಮಟ್ಟದಲ್ಲಿ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ಬಗ್ಗೆ ಕಾಮಗಾರಿ ನಿರ್ವಹಿಸುವ ಏಜೆನ್ಸಿಗಳ ವಿವರ ನೀಡುವುದು?